# ಕರ್ನಾಟಕ ವಿಧಾನಸಭೆ

(15ನೇ ವಿಧಾನಸಭೆ)
ಹತ್ತನೇ ಅಧಿವೇಶನ

## ಕಾರ್ಯಕಲಾಪಗಳ ಪಟ್ಟಿ

ಶುಕ್ರವಾರ, ದಿನಾಂಕ 17ನೇ ಸೆಪ್ಟೆಂಬರ್, 2021
(ಸಮಯ: ಬೆಳಿಗ್ಗೆ 10.30 ಗಂಟೆಗೆ)

----

## 1. ಪ್ರಶ್ನೋತ್ತರ

| | | |
|---|---|---|
| ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು | : | ಐದನೇ ಪಟ್ಟಿ |
| ಆ) **ವರ್ಗಾವಣೆಗೊಂಡ ಪ್ರಶ್ನೆ:-** | | |
| ದಿನಾಂಕ: 15.09.2021ರ 3ನೇ ಪಟ್ಟಿಯಿಂದ ವರ್ಗಾವಣೆಗೊಂಡ ಶ್ರೀ ಹಾಲಪ್ಪ ಹರತಾಳ್ ಇವರ ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ: 32(671) | : | ಮಾನ್ಯ ಕಂದಾಯ ಸಚಿವರು |
| ಇ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು | : | ಐದನೇ ಪಟ್ಟಿ |

## 2. ಶಾಸನ ರಚನೆ

### ವಿಧೇಯಕಗಳನ್ನು ಮಂಡಿಸುವುದು

**1. ಶ್ರೀ ಬಸವರಾಜ ಬೊಮ್ಮಾಯಿ (ಮಾನ್ಯ ಮುಖ್ಯಮಂತ್ರಿಗಳು) ಅವರು:-**

ಅ) 2021ನೇ ಸಾಲಿನ ಕರ್ನಾಟಕ ಪಟ್ಟಣ ಮತ್ತು ಗ್ರಾಮಾಂತರ ಯೋಜನೆ (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**2. ಶ್ರೀ ಆರಗ ಜ್ಞಾನೇಂದ್ರ (ಮಾನ್ಯ ಗೃಹ ಸಚಿವರು) ಅವರು:-**

ಅ) 2021ನೇ ಸಾಲಿನ ಕರ್ನಾಟಕ ಪೊಲೀಸು (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**... 2/ ..**

## II. ವಿಧೇಯಕವನ್ನು ಪರ್ಯಾಲೋಚಿಸುವುದು ಮತ್ತು ಅಂಗೀಕರಿಸುವುದು

1. **ಶ್ರೀ ಆರಗ ಜ್ಞಾನೇಂದ್ರ (ಮಾನ್ಯ ಗೃಹ ಸಚಿವರು) ಅವರು:–**

   ಅ) 2021ನೇ ಸಾಲಿನ ಬಂದಿಗಳ ಗುರುತಿಸುವಿಕೆ (ಕರ್ನಾಟಕ ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

   ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

2. **ಶ್ರೀ ಆರಗ ಜ್ಞಾನೇಂದ್ರ (ಮಾನ್ಯ ಗೃಹ ಸಚಿವರು) ಅವರು:–**

   ಅ) 2021ನೇ ಸಾಲಿನ ದಂಡ ಪ್ರಕ್ರಿಯಾ ಸಂಹಿತೆ (ಕರ್ನಾಟಕ ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

   ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

3. **ಶ್ರೀ ಆರಗ ಜ್ಞಾನೇಂದ್ರ (ಮಾನ್ಯ ಗೃಹ ಸಚಿವರು) ಅವರು:–**

   ಅ) 2021ನೇ ಸಾಲಿನ ಕರ್ನಾಟಕ ಬಂದೀಖಾನೆ ಅಭಿವೃದ್ಧಿ ಮಂಡಳಿ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

   ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

## 3. ನಿಯಮ 69ರ ಮೇರೆಗೆ ಸಾರ್ವಜನಿಕ ಮಹತ್ವದ ಜರೂರು ವಿಷಯಗಳ ಬಗ್ಗೆ ಅಲ್ಪ ಕಾಲಾವಧಿ ಚರ್ಚೆ

1) **ಶ್ರೀಯುತರುಗಳಾದ ಸಿದ್ದರಾಮಯ್ಯ, ಡಿ.ಕೆ. ಶಿವಕುಮಾರ್, ಕೆ.ಆರ್. ರಮೇಶ್ ಕುಮಾರ್, ಹೆಚ್.ಕೆ. ಪಾಟೀಲ್, ಕೆ.ಜೆ. ಜಾರ್ಜ್, ಡಾ. ಅಜಯ್ ಧರ್ಮಸಿಂಗ್ ಹಾಗೂ ಇತರರು** – ವಿವಿಧ ಧಾನ್ಯಗಳ, ಅಡುಗೆ ಅನಿಲ, ಪೆಟ್ರೋಲ್, ಡೀಸೆಲ್, ಔಷಧಿ ಸೇರಿದಂತೆ ಇತರೆ ಜೀವನಾವಶ್ಯಕ ವಸ್ತುಗಳ ಬೆಲೆ ಏರಿಕೆಯಿಂದಾಗಿ ಜನರ ಬದುಕು ಶೋಚನೀಯವಾಗಿರುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ನಡೆದ ಚರ್ಚೆಗೆ ಸರ್ಕಾರದ ಉತ್ತರ.

2) **ಶ್ರೀಯುತರುಗಳಾದ ಹೆಚ್.ಡಿ. ರೇವಣ್ಣ, ಹೆಚ್.ಡಿ. ಕುಮಾರ ಸ್ವಾಮಿ, ಸಿ.ಎನ್. ಬಾಲಕೃಷ್ಣ, ಸಿ.ಎಸ್. ಪುಟ್ಟರಾಜು ಹಾಗೂ ಕೆ.ಎಸ್. ಲಿಂಗೇಶ್** – ರಾಜ್ಯದಲ್ಲಿ ಪ್ರಗತಿ ಹಂತದಲ್ಲಿರುವ ವಿವಿಧ ಇಲಾಖೆಗಳ ಕಾಮಗಾರಿಗಳನ್ನು ಅನುಷ್ಠಾನಗೊಳಿಸಲು ಆದೇಶವನ್ನು ಹೊರಡಿಸುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

... 3/ ..

## 4. ಗಮನ ಸೆಳೆಯುವ ಸೂಚನೆಗಳು

1) **ಶ್ರೀ ಪ್ರಿಯಾಂಕ ಖರ್ಗೆ ಅವರು** – ಚಿತ್ತಾಪುರ ಪುರಸಭೆ ವ್ಯಾಪ್ತಿಯಲ್ಲಿ ಬರುವ ಪರಿಶಿಷ್ಟ ಜಾತಿ ಮತ್ತು ಪರಿಶಿಷ್ಟ ಪಂಗಡಗಳ ಜನ ವಸತಿ ಪ್ರದೇಶಗಳಲ್ಲಿ ಮೂಲಭೂತ ಸೌಕರ್ಯಗಳನ್ನು ಅಭಿವೃದ್ಧಿಪಡಿಸುವ ಬಗ್ಗೆ ಮಾನ್ಯ ಸಮಾಜ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರ ಗಮನ ಸೆಳೆಯುವುದು.

2) **ಶ್ರೀ ಪಿ.ಟಿ. ಪರಮೇಶ್ವರ ನಾಯ್ಕ್ ಅವರು** – ವಿಜಯನಗರ ಜಿಲ್ಲೆಯ ಹಡಗಲಿ ತಾಲ್ಲೂಕಿನ ವ್ಯಾಪ್ತಿಯಲ್ಲಿ ಸಿಂಗಟಾಲೂರು ಏತ ನೀರಾವರಿ ಯೋಜನೆಗೆ ಭೂಮಿ ಕಳೆದುಕೊಂಡ ರೈತರಿಗೆ ಭೂ ಪರಿಹಾರ ನೀಡುವ ಬಗ್ಗೆ ಮಾನ್ಯ ಜಲಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

3) **ಶ್ರೀ ಎಸ್. ಆರ್. ಶ್ರೀನಿವಾಸ್ (ವಾಸು) ಅವರು** – ತುಮಕೂರು ಜಿಲ್ಲಾ ಗುಬ್ಬಿ ತಾಲ್ಲೂಕಿನಲ್ಲಿ ಬಗರ್ ಹುಕುಂ ಸಮಿತಿ ರಚನೆಯ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

4) **ಶ್ರೀ ಎಂ.ಎಸ್. ಸೋಮಲಿಂಗಪ್ಪ ಅವರು** – ಬಳ್ಳಾರಿ ಜಿಲ್ಲೆಯ ಸಿರಗುಪ್ಪ ತಾಲ್ಲೂಕಿನ ತುಂಗಭದ್ರಾ ನದಿ ಅಂಚಿನಲ್ಲಿರುವ ವಿವಿಧ ಗ್ರಾಮಗಳ ಜನರಿಗೆ ಮೊಸಳೆ ಹಾವಳಿಯಿಂದ ಉಂಟಾಗುತ್ತಿರುವ ತೊಂದರೆಯ ಬಗ್ಗೆ ಮಾನ್ಯ ಅರಣ್ಯ ಹಾಗೂ ಆಹಾರ, ನಾಗರೀಕ ಸರಬರಾಜು ಮತ್ತು ಗ್ರಾಹಕರ ವ್ಯವಹಾರಗಳ ಸಚಿವರ ಗಮನ ಸೆಳೆಯುವುದು.

5) **ಶ್ರೀ ಎಂ .ಕೃಷ್ಣಪ್ಪ (ಬೆಂಗಳೂರು ದಕ್ಷಿಣ) ಅವರು** – ಕರ್ನಾಟಕ ರಸ್ತೆ ಅಭಿವೃದ್ಧಿ ನಿಗಮ ನಿಯಮಿತದ ಬೆಂಗಳೂರು ವಿಭಾಗವು ಪ್ಯಾಕೇಜ್–3ಬಿ ರಡಿಯಲ್ಲಿ ಕೈಗೊಂಡಿರುವ ಬನ್ನೇರುಘಟ್ಟದಿಂದ ಜಿಗಣಿವರೆಗಿನ ರಸ್ತೆ ಅಭಿವೃದ್ಧಿ ಕಾಮಗಾರಿಯನ್ನು ನಿಗದಿತ ಅವಧಿಯೊಳಗೆ ಪೂರ್ಣಗೊಳಿಸುವ ಬಗ್ಗೆ ಮಾನ್ಯ ಲೋಕೋಪಯೋಗಿ ಸಚಿವರ ಗಮನ ಸೆಳೆಯುವುದು.

6) **ಶ್ರೀ ರಿಜ್ವಾನ್ ಅರ್ಷದ್ ಅವರು** – ಶಿವಾನಂದ ವೃತ್ತದಲ್ಲಿ ನಿರ್ಮಾಣ ಹಂತದಲ್ಲಿರುವ ಗ್ರೇಡ್ ಸಪರೇಟರ್ ಕಾಮಗಾರಿಯ ವಿಳಂಬದಿಂದ ಜನಸಾಮಾನ್ಯರಿಗೆ ಉಂಟಾಗುತ್ತಿರುವ ತೊಂದರೆಯ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

7) **ಡಾ. ಯತೀಂದ್ರ ಸಿದ್ದರಾಮಯ್ಯ ಅವರು** – ಡಾ. ಬಿ.ಆರ್. ಅಂಬೇಡ್ಕರ್ ಅಭಿವೃದ್ಧಿ ನಿಗಮ ಮತ್ತು ಕರ್ನಾಟಕ ಆದಿ ಜಾಂಬವ ಅಭಿವೃದ್ಧಿ ನಿಗಮಗಳಿಂದ ವಿವಿಧ ಸೌಲಭ್ಯವನ್ನು ನೀಡಲು ನಿಗದಿಪಡಿಸಿರುವ ಗುರಿಯಲ್ಲಿನ ವ್ಯತ್ಯಾಸವನ್ನು ಸರಿಪಡಿಸುವ ಬಗ್ಗೆ ಮಾನ್ಯ ಸಮಾಜ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರ ಗಮನ ಸೆಳೆಯುವುದು.

... 4/ ..

8) **ಶ್ರೀ ಈ ತುಕಾರಾಂ ಅವರು** – ರಾಜ್ಯದಲ್ಲಿ ಗಣಿ ಚಟುವಟಿಕೆಗಳಿಂದ ಬಾಧಿತವಾದ ಪ್ರದೇಶಗಳ ಅಭಿವೃದ್ಧಿಗಾಗಿ ಸ್ಥಾಪಿಸಲಾಗಿರುವ ಜಿಲ್ಲಾ ಖನಿಜ ಪ್ರತಿಷ್ಠಾನ ನಿಧಿಯ ಬಳಕೆಗೆ ಸಂಬಂಧಿಸಿದಂತೆ ಕೇಂದ್ರ ಸರ್ಕಾರದ ನಿರ್ದೇಶನಗಳನುಸಾರ ಆದೇಶ ಹೊರಡಿಸುವ ಬಗ್ಗೆ ಮಾನ್ಯ ಗಣಿ ಮತ್ತು ಭೂವಿಜ್ಞಾನ ಹಾಗೂ ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ, ವಿಕಲಚೇತನರ ಮತ್ತು ಹಿರಿಯ ನಾಗರೀಕರ ಸಬಲೀಕರಣ ಸಚಿವರ ಗಮನ ಸೆಳೆಯುವುದು.

9) **ಶ್ರೀ ನಿಸರ್ಗ ನಾರಾಯಣ ಸ್ವಾಮಿ ಎಲ್.ಎನ್. ಅವರು** – ದೇವನಹಳ್ಳಿ ವಿಧಾನಸಭಾ ಕ್ಷೇತ್ರ ವ್ಯಾಪ್ತಿಯ ವಿಜಯಪುರ ಮತ್ತು ತೂಬಗೆರೆ ಪ್ರಾಥಮಿಕ ಆರೋಗ್ಯ ಕೇಂದ್ರಗಳನ್ನು ಮೂಲಭೂತ ಸೌಲಭ್ಯಗಳೊಂದಿಗೆ ಮೇಲ್ದರ್ಜೆಗೇರಿಸುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

ಎಂ.ಕೆ. ವಿಶಾಲಾಕ್ಷಿ
ಕಾರ್ಯದರ್ಶಿ(ಪ್ರ)

**ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.**
http://kla.kar.nic.in/assembly/lob/lob.htm